ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತಮೂರನೆಯ ಅಧಿವೇಶನ

ಗುರುವಾರ, ದಿನಾಂಕ: 4ನೇ ಫೆಬ್ರುವರಿ, 2021

ಕೋವಿಡ್ ಪರಿಣಾಮ ಪ್ರಾಧ್ಯಾಪಕರ ನೇಮಕಾತಿ ತಡೆಹಿಡಿದಿರುವ ಬಗ್ಗೆ

ಶ್ರೀ ಅ. ದೇವೇಗೌಡ (ಪದವೀಧರರ ಕ್ಷೇತ್ರ) :-

349(400) ಮಾನ್ಯ ಮುಖ್ಯಮಂತ್ರಿಗಳು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಖಾಸಗಿ ಅನುದಾನಿತ ಪ್ರಥಮ ದರ್ಜೆ ಕಾಲೇಜುಗಳಲ್ಲಿ ಖಾಲಿ ಇರುವ ಹುದ್ದೆಗಳನ್ನು ಭರ್ತಿ ಮಾಡಲು ಆರ್ಥಿಕ ಮತ್ತು ಶಿಕ್ಷಣ ಇಲಾಖೆಗಳ ಆದೇಶದಂತೆ ದಿನಾಂಕ:30.12.2015ರೊಳಗೆ ಮರಣ/ನಿವೃತ್ತಿ/ವರ್ಗಾವಣೆ ಹಾಗೂ ಇನ್ನಿತರ ಕಾರಣಗಳಿಂದ ತೆರವಾದ ಹುದ್ದೆಗಳನ್ನು ಭರ್ತಿ ಮಾಡಲು ಅವಕಾಶ ಕಲ್ಪಿಸಲಾಗಿದೆಯೇ;

(ಆ) 2020-21ನೇ ಸಾಲಿನಲ್ಲಿ ಆರ್ಥಿಕ ಇಲಾಖೆಯು ಕೋವಿಡ್-19ರ ಪರಿಣಾಮ ಸುತ್ತೋಲೆ ಹೊರಡಿಸಿ ವಿವಿಧ ಕಾಲೇಜುಗಳಲ್ಲಿ ಸಹಾಯಕ ಪ್ರಾಧ್ಯಾಪಕರಾಗಿ ಆಯ್ಕೆಯಾಗಿರುವ ಅಭ್ಯರ್ಥಿಗಳ ನೇಮಕಾತಿಯನ್ನು ತಡೆ ಹಿಡಿದಿರುವುದು ಸರಿಯೇ;

(ಇ) ಆರ್ಥಿಕ ಇಲಾಖೆಯು ಹೊರಡಿಸಿರುವ ಸುತ್ತೋಲೆಯಿಂದ ಹಲವಾರು ವರ್ಷಗಳಿಂದ ಕಾಲೇಜುಗಳಲ್ಲಿ ಅತಿಥಿ ಉಪನ್ಯಾಸಕರಾಗಿ ಕೆಲಸ ನಿರ್ವಹಿಸುತ್ತಿರುವವರ ವಯೋಮಿತಿ ಮೀರುತ್ತಿದ್ದು, ಆರ್ಥಿಕ ಇಲಾಖೆಯು ಹೊರಡಿಸಿರುವ ಸುತ್ತೋಲೆಯನ್ನು ಸರ್ಕಾರವು ಹಿಂಪಡೆಯಲು ಸೂಕ್ತ ಕ್ರಮ ವಹಿಸುವುದೇ ?